ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 10 ನೇ ಮಾರ್ಚ್, 2020

ಬೀದರ್ ಜಿಲ್ಲೆಯ ಒಳಚರಂಡಿ ಮತ್ತು 24 x 7 ನೀರು ಸರಬರಾಜು ಬಗ್ಗೆ

ಶ್ರೀ ಅರವಿಂದ ಕುಮಾರ್ ಅರಳಿ(ವಿಧಾನ ಸಭೆಯಿಂದ ಚುನಾಯಿತರಾದವರು):-

474 (788+789) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೀದರ್ ಜಿಲ್ಲೆಯ ಒಳಚರಂಡಿ ಮತ್ತು 24x 7 ನೀರು ಸರಬರಾಜು ಯೋಜನೆ ಕಾಮಗಾರಿಗಾಗಿ ಡಾಂಬರೀಕರಣ ಮತ್ತು ಸಿ.ಸಿ. ರಸ್ತೆಗಳನ್ನು ಅಗೆದು ದುರಸ್ತಿ ಮಾಡದೆ ಹಾಗೆಯೇ ಬಿಟ್ಟಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಈ ಕಾಮಗಾರಿಯು ಕಳಪೆ ಗುಣಮಟ್ಟದಿಂದ ಕೂಡಿದ್ದು, ಜನ ಸಾಮಾನ್ಯರ ಉಪಯೋಗಕ್ಕೆ ಬಾರದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಬಂದಿದ್ದಲ್ಲಿ, ಆ ಗುತ್ತಿಗೆದಾರರ ವಿರುದ್ಧ ಯಾವ ಕ್ರಮ ಕೈಗೊಳ್ಳಲಾಗಿದೆ; ಬರದಿದ್ದಲ್ಲಿ, ಇದಕ್ಕೆ ಹೊಣೆಗಾರರು ಯಾರು;

(ಈ) ಇಲ್ಲವಾದಲ್ಲಿ ಜಿಲ್ಲೆಯ ಜನರ ಸಮಸ್ಯೆಗಳನ್ನು ಬಗೆಹರಿಸುವುದು ಹೇಗೆ?